# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಒಂಬತ್ತನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 01ನೇ ಮಾರ್ಚ್, 2016
(ಸಮಯ: ಬೆಳಗ್ಗೆ 11.00 ಗಂಟೆಗೆ)

-----

### 1. ಸಂತಾಪ ಸೂಚನೆ

### 2. ಪ್ರಶ್ನೋತ್ತರ

**ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ**
**ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಮೊದಲನೇ ಪಟ್ಟಿ**

### 3. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

"2016ರ ಫೆಬ್ರವರಿ 29ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರುಗಳನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಮಾನ್ಯ ರಾಜ್ಯಪಾಲರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ"

ಎಂದು ಶ್ರೀ ಕೆ.ಆರ್.ರಮೇಶ್‌ಕುಮಾರ್ ಅವರು ಸೂಚಿಸುವುದು.

ಶ್ರೀ ಕೆ.ಶಿವಮೂರ್ತಿ ಅವರು ಅನುಮೋದಿಸುವುದು.

### 4. ಗಮನ ಸೆಳೆಯುವ ಸೂಚನೆಗಳು

1. ಶ್ರೀ ಮಾಲೀಕಯ್ಯ ವೆಂಕಯ್ಯ ಗುತ್ತೇದಾರರವರು – ಬರಗಾಲ ಪೀಡಿತ ಪ್ರದೇಶವಾಗಿ ಘೋಷಣೆಗೊಂಡಿರುವ ಕಲಬುರುಗಿ ಜಿಲ್ಲೆಯ ಅಫಜಲಪುರ ಕ್ಷೇತ್ರದ ರೈತರು ಮತ್ತು ಸಾರ್ವಜನಿಕರಿಗೆ ಕೂಡಲೆ ಕುಡಿಯುವ ನೀರಿನ ಸೌಲಭ್ಯ, ಬರಗಾಲದ ಪರಿಹಾರ ಹಾಗೂ ಬೆಳೆವಿಮೆ ಪರಿಹಾರ ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

2. ಶ್ರೀ ಸಿದ್ದು ಭೀ ನ್ಯಾಮಗೌಡ ರವರು – ಕುಡಿಯುವ ನೀರಿನ ಭೀಕರ ಸಮಸ್ಯೆಯಿಂದ ಬಳಲುತ್ತಿರುವ ಕೃಷ್ಣಾನದಿ ದಂಡೆಯ ನೂರಾರು ಹಳ್ಳಿಗಳ ಜನರು ಮತ್ತು ಜಾನುವಾರುಗಳಿಗೆ ಆಗುತ್ತಿರುವ ಸಮಸ್ಯೆಯನ್ನು ನೀಗಿಸುವ ಸಲುವಾಗಿ ವಾರಣಾ/ಕೊಯ್ನಾ ಡ್ಯಾಂ ನಿಂದ ನೀರನ್ನು ಬಿಡಿಸಲು ಮಹಾರಾಷ್ಟ್ರ ಸರ್ಕಾರದೊಂದಿಗೆ ಮಾತುಕತೆ ನಡೆಸಿ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

2....

3. ಶ್ರೀ ಎಂ.ಕೃಷ್ಣಾರೆಡ್ಡಿ ರವರು – ಚಿಕ್ಕಬಳ್ಳಾಪುರ ಜಿಲ್ಲೆಯ ಕನಂಪಲ್ಲಿ ಗ್ರಾಮದ ಸರ್ವೆ ನಂ. 11ರ 1-25 ಗುಂಟೆ ಸರ್ಕಾರಿ ಹುಲ್ಲು ಬನ್ನಿ ಖರಾಬು ಜಮೀನನ್ನು ಸರ್ಕಾರದ ವಶಕ್ಕೆ ಪಡೆಯಲು ಕೈಗೊಂಡ ಕ್ರಮಗಳ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

4. ಶ್ರೀ ಜಿ.ಹೆಚ್.ಶ್ರೀನಿವಾಸ್ ರವರು – ತರೀಕೆರೆಯಲ್ಲಿರುವ ಕಾರಾಗೃಹ ಇಲಾಖೆಯ ಸಿಬ್ಬಂದಿಗಳ ವಸತಿ ಗೃಹಗಳು ಶಿಥಿಲವಾಗಿದ್ದು, ಅವುಗಳನ್ನು ದುರಸ್ಥಿಗೊಳಿಸುವ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

5. ಶ್ರೀ ಜೊಲ್ಲೆ ಶಶಿಕಲಾ ಅಣ್ಣಾಸಾಹೇಬ ರವರು - ನಿಪ್ಪಾಣಿ ಮತಕ್ಷೇತ್ರದ ಮಾಂಗೂರ ಮತ್ತು ಕಾರದಗಾ ಗ್ರಾಮಗಳಲ್ಲಿ ಇತ್ತೀಚೆಗೆ ಶಾರ್ಟಸರ್ಕ್ಯೂಟ್‌ನಿಂದ ಉಂಟಾದ ಬೆಂಕಿ ಆಕಸ್ಮಿಕದಲ್ಲಿ ಅಪರೂಪದ ಜಾನುವಾರುಗಳು ಬಲಿಯಾಗಿರುವುದರಿಂದ ನಷ್ಟಕ್ಕೊಳಗಾಗಿರುವ ರೈತ ಕುಟುಂಬಗಳಿಗೆ ಅಗತ್ಯ ಪರಿಹಾರವನ್ನು ನೀಡುವ ಬಗ್ಗೆ ಮಾನ್ಯ ಪಶುಸಂಗೋಪನೆ ಮತ್ತು ರೇಷ್ಮೆ ರಾಜ್ಯ ಸಚಿವರ ಗಮನಸೆಳೆಯುವುದು.

6. ಶ್ರೀ ಹೆಚ್.ಡಿ.ರೇವಣ್ಣ ರವರು – ಹಾಸನ, ಚನ್ನರಾಯಪಟ್ಟಣ ಮತ್ತು ಹೊಳೆನರಸೀಪುರ ತಾಲ್ಲೂಕುಗಳ ಗ್ರಾಮಗಳಿಗೆ ಕುಡಿಯುವ ನೀರಿನ ಯೋಜನೆಗಳಿಗೆ **"ಬಹುಗ್ರಾಮ ಯೋಜನೆ"** ಅಡಿಯಲ್ಲಿ ಕಾಮಗಾರಿಗಳ ಪ್ರಾಥಮಿಕ ಸರ್ವೆ ಕಾಮಗಾರಿ ಮುಗಿದಿದ್ದು, ಕಾವೇರಿ ನೀರಾವರಿ ನಿಗಮದ ವತಿಯಿಂದ ಸದರಿ ಯೋಜನೆಗೆ ಅನುಮೋದನೆ ದೊರೆತಿದ್ದರೂ **SLSSC** ಸಮಿತಿಗೆ ಪ್ರಸ್ತಾವನೆಯು ಮಂಡನೆಯಾಗದಿರುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

7. ಶ್ರೀ ಕೆ.ಆರ್.ರಮೇಶ್ ಕುಮಾರ್ ರವರು – ಕರ್ನಾಟಕ ಪರೀಕ್ಷಾ ಪ್ರಾಧಿಕಾರದ ಇತ್ತೀಚಿನ ಆದೇಶದಂತೆ ತುಮಕೂರು ನಗರದಲ್ಲಿರುವ ಶ್ರೀದೇವಿ ವೈದ್ಯಕೀಯ ಕಾಲೇಜಿನಲ್ಲಿ ಪ್ರವೇಶಾತಿ ಪಡೆದಿರುವ ವಿದ್ಯಾರ್ಥಿಗಳನ್ನು ಕಾಲೇಜಿನಿಂದ ಹೊರ ಹಾಕಿರುವ ಬಗ್ಗೆ ಮಾನ್ಯ ವೈದ್ಯಕೀಯ ಶಿಕ್ಷಣ ರಾಜ್ಯ ಸಚಿವರ ಗಮನ ಸೆಳೆಯುವುದು.

ಎಸ್.ಮೂರ್ತಿ
ಕಾರ್ಯದರ್ಶಿ (ಕಾರ್ಯಭಾರ)